ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತೆರಡನೆಯ ಅಧಿವೇಶನ

ಬುಧವಾರ, ದಿನಾಂಕ: 09ನೇ ಡಿಸೆಂಬರ್, 2020

ವಸತಿ ಯೋಜನೆಯ ಫಲಾನುಭವಿಗಳಿಗೆ ಅನುದಾನ ಬಿಡುಗಡೆ ವಿಳಂಬವಾಗುತ್ತಿರುವ ಬಗ್ಗೆ

ಶ್ರೀ ಕೆ.ಟಿ.ಶ್ರೀಕಂಠೇಗೌಡ (ಪದವೀಧರರ ಕ್ಷೇತ್ರ) :-

227 (279) ಮಾನ್ಯ ವಸತಿ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಕಳೆದ ಮೂರು ವರ್ಷಗಳಲ್ಲಿ ವಿವಿಧ ವಸತಿ ಯೋಜನೆಗಳಲ್ಲಿ ಮಂಜೂರಾದ ಮನೆಗಳ ಸಂಖ್ಯೆ ಎಷ್ಟು; ಅರ್ಹ ಫಲಾನುಭವಿಗಳ ಸಂಖ್ಯೆ ಎಷ್ಟು; (ಯೋಜನಾವಾರು, ಫಲಾನುಭವಿಗಳ ಹೆಸರುವಾರು ವಿವರ ನೀಡುವುದು)

(ಆ) ಇದರಲ್ಲಿ ಪೂರ್ಣಗೊಂಡ ಮನೆಗಳೆಷ್ಟು; ಅಪೂರ್ಣಗೊಂಡ ಮನೆಗಳೆಷ್ಟು; (ವಿವರ ನೀಡುವುದು)

(ಇ) ಕಾಮಗಾರಿ ಪೂರ್ಣಗೊಂಡಿದ್ದರೂ ಕಳೆದ 8 (ಎಂಟು) ತಿಂಗಳಿಂದ ಫಲಾನುಭವಿಗಳಿಗೆ ಅನುದಾನ ಬಿಡುಗಡೆಯಾಗದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಈ) ಹಾಗಿದ್ದಲ್ಲಿ, ಶೀಘ್ರವಾಗಿ ಅನುದಾನವನ್ನು ಬಿಡುಗಡೆ ಮಾಡಲು ಸರ್ಕಾರ ಕೈಗೊಂಡ ಕ್ರಮಗಳೇನು?